# ಕರ್ನಾಟಕ ವಿಧಾನ ಪರಿಷತ್ತು

**ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ** : 1952(2259)
**ಸದಸ್ಯರ ಹೆಸರು** : ಶ್ರೀ ಪ್ರಕಾಶ್ ಕೆ. ರಾಥೋಡ್ (ನಾಮನಿರ್ದೇಶನ ಹೊಂದಿದವರು)
**ಉತ್ತರಿಸುವ ದಿನಾಂಕ** : 21.03.2022
**ಉತ್ತರಿಸುವ ಸಚಿವರು** : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು.

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯದಲ್ಲಿರುವ ಪ್ರೌಢಶಾಲೆ ಹಾಗೂ ಪದವಿಪೂರ್ವ ಕಾಲೇಜುಗಳಲ್ಲಿ ಬೋಧಕ ಹಾಗೂ ಬೋಧಕೇತರ ಎಷ್ಟು ಹುದ್ದೆಗಳು ಖಾಲಿಯಿವೆ; (ವಿವರ ಒದಗಿಸುವುದು) | ರಾಜ್ಯದಲ್ಲಿರುವ ಅನುದಾನಿತ ಪ್ರೌಢಶಾಲೆ ಮತ್ತು ಪದವಿ ಪೂರ್ವ ಕಾಲೇಜುಗಳಲ್ಲಿನ ಬೋಧಕ ಹಾಗೂ ಬೋಧಕೇತರ ಖಾಲಿ ಹುದ್ದೆಗಳ ವಿವರ ಈ ಕೆಳಕಂಡಂತಿದೆ:- (ಕೆಳಗಿನ ಕೋಷ್ಟಕಗಳು) |
| ಆ | ಖಾಸಗಿ ಅನುದಾನಿತ ಪ್ರೌಢಶಾಲೆ ಹಾಗೂ ಪದವಿಪೂರ್ವ ಕಾಲೇಜುಗಳಲ್ಲಿ ನಿವೃತ್ತಿ, ನಿಧನ ರಾಜೀನಾಮೆ ಹಾಗೂ ಇನ್ನಿತರೆ ಕಾರಣಗಳಿಂದ ಎಷ್ಟು ಹುದ್ದೆಗಳು ಖಾಲಿಯಿವೆ; | ಖಾಸಗಿ ಅನುದಾನಿತ ಪ್ರೌಢಶಾಲೆಗಳಲ್ಲಿ ಖಾಲಿ ಇರುವ ಬೋಧಕ ಹುದ್ದೆಗಳ ಸಂಖ್ಯೆ:- 2448<br>ಖಾಸಗಿ ಅನುದಾನಿತ ಪ್ರೌಢಶಾಲೆಗಳಲ್ಲಿ ಖಾಲಿ ಇರುವ ಬೋಧಕೇತರ ಹುದ್ದೆಗಳ ಸಂಖ್ಯೆ:- 2919<br>ಖಾಸಗಿ ಅನುದಾನಿತ ಪದವಿಪೂರ್ವ ಕಾಲೇಜುಗಳಲ್ಲಿ ಖಾಲಿ ಇರುವ ಬೋಧಕ ಹುದ್ದೆಗಳು:-3464<br>ಖಾಸಗಿ ಅನುದಾನಿತ ಪದವಿಪೂರ್ವ ಕಾಲೇಜುಗಳಲ್ಲಿ ಖಾಲಿ ಇರುವ ಬೋಧಕೇತರ ಹುದ್ದೆಗಳು:-1654 |
| ಇ | ಖಾಲಿ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು? (ಸಂಪೂರ್ಣ ಮಾಹಿತಿ ನೀಡುವುದು) | **ಖಾಸಗಿ ಅನುದಾನಿತ ಪ್ರೌಢಶಾಲೆಗಳು :**<br>ಖಾಸಗಿ ಅನುದಾನಿತ ಪ್ರೌಢ ಶಾಲೆಗಳಲ್ಲಿ ದಿನಾಂಕ:31-12-2015ರ ಪೂರ್ವದಲ್ಲಿ ನಿಧನ, ನಿವೃತ್ತಿ, ರಾಜೀನಾಮೆ ಹಾಗೂ ಇತರೆ ಕಾರಣಗಳಿಂದ ತೆರವಾದ 3633 ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರದ ಆದೇಶ ಸಂಖ್ಯೆ: ಇಡಿ 14 ಎಸ್.ಇ.ಪಿ 2017, ದಿನಾಂಕ:25-09-2018ರಲ್ಲಿ ಅನುಮೋದನೆ ನೀಡಲಾಗಿತ್ತು. |

| ಅನುದಾನಿತ ಪ್ರೌಢ ಶಾಲೆಗಳಲ್ಲಿನ ಖಾಲಿ ಬೋಧಕ ಹುದ್ದೆಗಳು | ಅನುದಾನಿತ ಪ್ರೌಢ ಶಾಲೆ ಗಳಲ್ಲಿನ ಖಾಲಿ ಬೋಧಕೇತರ ಹುದ್ದೆಗಳು | ಅನುದಾನಿತ ಪದವಿ ಪೂರ್ವ ಕಾಲೇಜು ಖಾಲಿ ಬೋಧಕ ಹುದ್ದೆಗಳು | ಅನುದಾನಿತ ಪದವಿ ಪೂರ್ವ ಕಾಲೇಜು ಖಾಲಿ ಬೋಧಕೇತರ ಹುದ್ದೆಗಳು |
|---|---|---|---|
| 2448 | 2919 | 3464 | 1654 |

| ಸರ್ಕಾರಿ ಪ್ರೌಢ ಶಾಲೆಗಳಲ್ಲಿನ ಖಾಲಿ ಬೋಧಕ ಹುದ್ದೆಗಳು | ಸರ್ಕಾರಿ ಪ್ರೌಢ ಶಾಲೆ ಗಳಲ್ಲಿನ ಖಾಲಿ ಬೋಧಕೇತರ ಹುದ್ದೆಗಳು | ಸರ್ಕಾರಿ ಪದವಿ ಪೂರ್ವ ಕಾಲೇಜು ಖಾಲಿ ಬೋಧಕ ಹುದ್ದೆಗಳು | ಸರ್ಕಾರಿ ಪದವಿ ಪೂರ್ವ ಕಾಲೇಜು ಬೋಧಕೇತರ ಖಾಲಿ ಹುದ್ದೆಗಳು |
|---|---|---|---|
| 12,286 | 2606 | 3204 | 1470 |

| | | |
|---|---|---|
| | | ಆದರೆ, ಅನುದಾನಿತ ಸಂಸ್ಥೆಗಳಲ್ಲಿ ನಿವೃತ್ತಿ, ನಿಧನ, ರಾಜೀನಾಮೆ ಹಾಗೂ ಇತರೆ ಕಾರಣಗಳಿಂದ ಖಾಲಿ ಇರುವ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಹೊಸದಾಗಿ ಸಹಮತಿ ನೀಡುವಂತಿಲ್ಲ ಎಂದು ಸರ್ಕಾರದ ಸುತ್ತೋಲೆ ಸಂಖ್ಯೆ: ಆಇ 157 ವೆಚ್ಚ-8 ದಿನಾಂಕ:10/06/2020ರಲ್ಲಿ ನಿರ್ದೇಶನ ನೀಡಲಾಗಿದೆ.<br><br>ಆದಾಗ್ಯೂ, ಪುನ: ಆರ್ಥಿಕ ಇಲಾಖೆಗೆ ಪ್ರಸ್ತಾವನೆ ಸಲ್ಲಿಸಿದ ಮೇರೆಗೆ ಅನುದಾನಿತ ಪ್ರೌಢಶಾಲೆಗಳಲ್ಲಿ ದಿನಾಂಕ: 31/12/2015ರ ಪೂರ್ವದಲ್ಲಿ ನಿವೃತ್ತಿ, ನಿಧನ, ರಾಜೀನಾಮೆ ಮತ್ತು ಇತರೆ ಕಾರಣಗಳಿಂದ ಖಾಲಿಯಾಗಿರುವ ಹುದ್ದೆಗಳ ಪೈಕಿ ಈಗಾಗಲೇ ಇಲಾಖೆಯಿಂದ ಅನುಮೋದನೆಗೊಂಡು ನೇಮಕಾತಿ ಪ್ರಕ್ರಿಯೆಯು ಇಲಾಖೆಯ ಹಂತದಲ್ಲಿ ಬಾಕಿಯಿರುವ ಅನುದಾನಿತ ಪ್ರೌಢಶಾಲೆಯ 257 ಭೋದಕ ಹುದ್ದೆಗಳನ್ನು ಭರ್ತಿ ಮಾಡಲು ಅನುಮೋದನೆ ನೀಡಲಾಗಿದೆ.<br><br>ಮುಂದುವರೆದು, ಅನುದಾನಿತ ಪ್ರೌಢಶಾಲೆಗಳಲ್ಲಿ ದಿನಾಂಕ: 31/12/2015ರ ಪೂರ್ವದಲ್ಲಿ ನಿವೃತ್ತಿ, ನಿಧನ, ರಾಜೀನಾಮೆ ಮತ್ತು ಇತರೆ ಕಾರಣಗಳಿಂದ ಖಾಲಿಯಾಗಿರುವ ಬಾಕಿ 1924 ಹುದ್ದೆಗಳನ್ನು ಭರ್ತಿ ಮಾಡಲು ಸಹಮತಿ ನೀಡುವಂತೆ ಆರ್ಥಿಕ ಇಲಾಖೆಯನ್ನು ಕೋರಲಾಗಿದೆ.<br><br>**ಖಾಸಗಿ ಅನುದಾನಿತ ಪದವಿಪೂರ್ವ ಕಾಲೇಜುಗಳು :**<br><br>ದಿನಾಂಕ:31/12/2015ರವರೆಗೆ ಖಾಸಗಿ ಅನುದಾನಿತ ಪದವಿಪೂರ್ವ ಕಾಲೇಜುಗಳಲ್ಲಿ ನಿವೃತ್ತಿ, ನಿಧನ, ರಾಜೀನಾಮೆ ಮತ್ತು ಇತ್ಯಾದಿ ಕಾರಣಗಳಿಂದ ತೆರವಾದ ಬೋಧಕ ಹುದ್ದೆಗಳ ಪೈಕಿ ನಿಗದಿತ ಕಾರ್ಯಭಾರವಿರುವ ಒಟ್ಟು 998 ಬೋಧಕ ಹುದ್ದೆಗಳನ್ನು ಭರ್ತಿ ಮಾಡಲು ಅವಕಾಶ ಕಲ್ಪಿಸಿದೆ.<br><br>ಸದರಿ 998 ಹುದ್ದೆಗಳಲ್ಲಿ ಈಗಾಗಲೇ 323 ಹುದ್ದೆಗಳನ್ನು ತುಂಬಲಾಗಿದೆ. ಉಳಿದ 675 ಹುದ್ದೆಗಳ ಪೈಕಿ 436 ಹುದ್ದೆಗಳಿಗೆ ಸಂಬಂಧಿಸಿದ ಆಡಳಿತ ಮಂಡಳಿಯಿಂದ ಪ್ರಸ್ತಾವನೆ ಸಲ್ಲಿಸಿರುವುದಿಲ್ಲ. ಬಾಕಿ ಉಳಿದ 239 ಹುದ್ದೆಗಳು ಇಲಾಖೆಯ/ ಅಧೀನ ಕಛೇರಿಗಳಲ್ಲಿ ಪರಿಶೀಲನಾ ಹಂತದಲ್ಲಿ ಬಾಕಿ ಉಳಿದಿರುತ್ತದೆ. |

ಇಪಿ 123 ಎಸ್‌ಇಎಸ್ 2022

(ಬಿ.ಸಿ.ನಾಗೇಶ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ
ಹಾಗೂ ಸಕಾಲ ಸಚಿವರು